## ಕರ್ನಾಟಕ ವಿಧಾನ ಪರಿಷತ್ತು

1. ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ: : 1478
2. ಸದಸ್ಯರ ಹೆಸರು : ಶ್ರೀ ಸಲೀಂ ಅಹಮದ್
3. ಉತ್ತರಿಸಬೇಕಾದ ದಿನಾಂಕ: : 10-03-2022
4. ಉತ್ತರಿಸುವ ಸಚಿವರು : ಕಾನೂನು, ಸಂಸದೀಯ ವ್ಯವಹಾರಗಳು ಹಾಗೂ ಶಾಸನ ರಚನೆ ಮತ್ತು ಸಣ್ಣ ನೀರಾವರಿ ಸಚಿವರು

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| 1 | ವಿವಿಧ ನಿಗಮಗಳಿಂದ ಅನುಷ್ಠಾನಗೊಳ್ಳುತ್ತಿರುವ ಗಂಗಾ ಕಲ್ಯಾಣ ಯೋಜನೆಗೂ ಮತ್ತು ಸಣ್ಣ ನೀರಾವರಿ ಇಲಾಖೆಯ ಮುಖಾಂತರ ಅನುಷ್ಠಾನ ಮಾಡುತ್ತಿರುವ ಗಂಗಾಕಲ್ಯಾಣ ಯೋಜನೆಗೂ ಘಟಕ ವೆಚ್ಚದಲ್ಲಿ ವ್ಯತ್ಯಾಸವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಸಣ್ಣ ನೀರಾವರಿ ಇಲಾಖೆಯ ಮುಖಾಂತರ ಅನುಸೂಚಿತ ಜಾತಿಗಳು ಮತ್ತು ಅನುಸೂಚಿತ ಪಂಗಡಗಳ ಫಲಾನುಭವಿ ರೈತರ ಜಮೀನುಗಳಿಗೆ ಕೊಳವೆ ಬಾವಿ, ತೆರೆದ ಬಾವಿ ಮೂಲಕ ನೀರಾವರಿ ಸೌಲಭ್ಯ ಕಲ್ಪಿಸುವ ಕಾಮಗಾರಿಗಳನ್ನು ವಿಶೇಷ ಘಟಕ ಯೋಜನೆ ಮತ್ತು ಗಿರಿಜನ ಉಪ ಯೋಜನೆ ಅಡಿ ಕೈಗೊಳ್ಳಲಾಗುತ್ತಿದೆ.<br>ವೈಯಕ್ತಿಕ ಫಲಾನುಭವಿಗಳಿಗೆ ಕೊಳವೆ ಬಾವಿ ಮೂಲಕ ನೀರಾವರಿ ಸೌಲ್ಯಭ್ಯ ಕಲ್ಪಿಸುವ ಕಾಮಗಾರಿಗಳ ಘಟಕ ವೆಚ್ಚದಲ್ಲಿ ವ್ಯತ್ಯಾಸವಾಗಿರುವುದನ್ನು ಗಮನಿಸಲಾಗಿದ್ದು, ಈ ವ್ಯತ್ಯಾಸವು ಪ್ರಮುಖವಾಗಿ ವಿದ್ಯುತ್ ಸಂಪರ್ಕ ಕಲ್ಪಿಸುವ ಕಾಮಗಾರಿಯಿಂದಾಗಿರುತ್ತದೆ. |
| 2 | ಬಂದಿದ್ದಲ್ಲಿ, ಈ ವ್ಯತ್ಯಾಸವನ್ನು ಸರಿದೂಗಿಸಲು ಸರ್ಕಾರವು ಕೈಗೊಂಡಿರುವ ಕ್ರಮಗಳೇನು; | ದಿನಾಂಕ:28.05.2020 ರಂದು ಜರುಗಿದ ರಾಜ್ಯ ಅನುಸೂಚಿತ ಜಾತಿಗಳು/ಅನುಸೂಚಿತ ಪಂಗಡಗಳ ಅಭಿವೃದ್ಧಿ ಪರಿಷತ್ ಸಭೆಯಲ್ಲಿ ವೈಯಕ್ತಿಕ ಕೊಳವೆ ಬಾವಿಗಳ ವಿದ್ಯುದ್ದೀಕರಣಕ್ಕೆ ಗಂಗಾ ಕಲ್ಯಾಣ ಯೋಜನೆಯಂತೆ ರೂ.50,000/-ದಲ್ಲಿ ವಿದ್ಯುತ್ ಸಂಪರ್ಕ ಕಲ್ಪಿಸಲು ಇಂಧನ ಇಲಾಖೆಗೆ ಪ್ರಸ್ತಾವನೆ ಸಲ್ಲಿಸಲು ತೀರ್ಮಾನಿಸಲಾಗಿರುತ್ತದೆ.<br>ಅದರಂತೆ, ವ್ಯವಸ್ಥಾಪಕ ನಿರ್ದೇಶಕರು, ಹೆಸ್ಕಾಂ, ಹುಬ್ಬಳ್ಳಿ ಹಾಗೂ ವ್ಯವಸ್ಥಾಪಕ ನಿರ್ದೇಶಕರು, ಜೆಸ್ಕಾಂ, ಕಲಬುರಗಿ ಇವರಿಗೆ ಈ ಕುರಿತು ಕ್ರಮವಹಿಸಲು ಸೂಚಿಲಾಗಿರುತ್ತದೆ. |
| 3 | ಕಳೆದ 3 ವರ್ಷಗಳಲ್ಲಿ ಹಾವೇರಿ, ಗದಗ ಮತ್ತು ಹುಬ್ಬಳ್ಳಿ-ಧಾರವಾಡ ಜಿಲ್ಲೆಗಳಿಗೆ ಈ ಯೋಜನೆಯಡಿ ಎಷ್ಟು ಫಲಾನುಭವಿಗಳಿಗೆ ಅನುಕೂಲ ಮಾಡಿಕೊಡಲಾಗಿದೆ? | ಕಳೆದ 3 ವರ್ಷಗಳಲ್ಲಿ ಹಾವೇರಿ, ಗದಗ ಮತ್ತು ಧಾರವಾಡ ಜಿಲ್ಲೆಗಳಿಗೆ ವಿಶೇಷ ಘಟಕ ಮತ್ತು ಗಿರಿಜನ ಉಪ ಯೋಜನೆ ಯೋಜನೆಗಳಡಿ ಕೈಗೊಳ್ಳಲಾದ ಕೊಳವೆ ಬಾವಿ, ಬಾಂದಾರ, ಏತ ನೀರಾವರಿ ಯೋಜನೆಗಳ ಮೂಲಕ ಈ ಕೆಳಗಿನಂತೆ ಫಲಾನುಭವಿಗಳಿಗೆ ಅನುಕೂಲ ಮಾಡಿಕೊಡಲಾಗಿದೆ. |

| ಜಿಲ್ಲೆ | ವಿಶೇಷ ಘಟಕ ಯೋಜನೆ ಅಡಿ ಫಲಾನುಭವಿಗಳ ಸಂಖ್ಯೆ | ಗಿರಿಜನ ಯೋಜನೆ ಅಡಿ ಫಲಾನುಭವಿಗಳ ಸಂಖ್ಯೆ |
|---|---|---|
| ಹಾವೇರಿ | 552 | 218 |
| ಗದಗ | 47 | 21 |
| ಧಾರವಾಡ | 207 | 149 |

ಸಂಖ್ಯೆ: **MID 42 LCQ 2022.**

(ಜೆ.ಸಿ.ಮಾಧುಸ್ವಾಮಿ)
ಕಾನೂನು, ಸಂಸದೀಯ ವ್ಯವಹಾರಗಳು
ಹಾಗೂ ಶಾಸನ ರಚನೆ ಮತ್ತು ಸಣ್ಣ ನೀರಾವರಿ ಸಚಿವರು.